ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಗುರುವಾರ, ದಿನಾಂಕ : 24 ನೇ ಸೆಪ್ಟೆಂಬರ್, 2020

ರಾಜ್ಯದಲ್ಲಿ ಡ್ರಗ್ಸ್ ದಂಧೆ ವ್ಯಾಪಕವಾಗಿರುವ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) –

473 (576) ಮಾನ್ಯ ಗೃಹ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ರಾಜ್ಯದಲ್ಲಿ ಡ್ರಗ್ಸ್ ಮಾರಾಟ ದಂಧೆ ವ್ಯಾಪಕವಾಗಿ ನಡೆಯುತ್ತಿದ್ದು, ಯುವ ಪೀಳಿಗೆ ಇದರ ಜಾಲಕ್ಕೆ, ಬಿದ್ದು ಜೀವನ ಹಾಳು ಮಾಡಿಕೊಳ್ಳುತ್ತಿರುವುದನ್ನು ಸರ್ಕಾರ ಗಂಭೀರವಾಗಿ ಪರಿಗಣಿಸಿದೆಯೇ;

(ಆ) ಸದರಿ ಮಾದಕ ವಸ್ತು ಮಾರಾಟ ದಂಧೆಯನ್ನು ಪರಿಣಾಮಕಾರಿಯಾಗಿ ಹತ್ತಿಕ್ಕಲು ಸರ್ಕಾರ ಯಾವ ಯಾವ ಕ್ರಮಗಳನ್ನು ಕೈಗೊಂಡಿದೆ;

(ಇ) ಕಳೆದ ಎರಡು ವರ್ಷಗಳಲ್ಲಿ ರಾಜ್ಯದಲ್ಲಿ ಮಾದಕ ವಸ್ತು ಮಾರಾಟ ಮಾಡುತ್ತಿರುವ ಎಷ್ಟು ಮಂದಿಯನ್ನು ಬಂಧಿಸಲಾಗಿದೆ; ಎಷ್ಟು ಮಂದಿಯನ್ನು ಕಾನೂನಿನಡಿ ಶಿಕ್ಷೆಗೆ ಒಳಪಡಿಸಲಾಗಿದೆ;

(ಈ) ತಿಂಗಳುಗಟ್ಟಲೆ ನಿಗಾವಹಿಸಿ ಡ್ರಗ್ ಪೆಡ್ಲರ್ನ್ನು ಬಂಧಿಸಿ ನ್ಯಾಯಾಂಗ ಬಂಧನಕ್ಕೊಳಪಡಿಸಿದರೆ ಆರೋಪಿ ವಾರದೊಳಗೆ ಜಾಮೀನಿನ ಮೇಲೆ ಹೊರಗೆ ಬರಲು ಕಾರಣವೇನು;

(ಉ) ಮಾದಕ ವಸ್ತು ಪ್ರಕರಣಗಳಲ್ಲಿ ತ್ವರಿತ ವಿಚಾರಣೆ ನಡೆಸಿ ಆರೋಪಿಗಳಿಗೆ ಕಠಿಣ ಶಿಕ್ಷೆ ವಿಧಿಸುವಂತೆ ಮಾಡಲು ನ್ಯಾಯಾಲಯಗಳಿಗೆ ಮನವಿ ಮಾಡುವ ಯೋಚನೆ ಸರ್ಕಾರಕ್ಕಿದೆಯೇ?